


# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ರಹಿತ ಪ್ರಶ್ನೆ

ದಿನಾಂಕ : 31-03-2021 ಪ್ರಶ್ನೆ ಸಂಖ್ಯೆ : 3021 (2511)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 31-03-2021

ಉತ್ತರಿಸುವ ಸಚಿವರು: ಸಮಾಜ ಕಲ್ಯಾಣ ಸಚಿವರು

ವಿಷಯ : ಆರ್ಥಿಕವಾಗಿ ಹಿಂದುಳಿದ ವರ್ಗಗಳ ವಿದ್ಯಾರ್ಥಿಗಳ ವಸತಿ ನಿಲಯಗಳ ಬಗ್ಗೆ

(ಅ) ಬೆಳಗಾವಿ ಜಿಲ್ಲೆಯಲ್ಲಿ ಮೆಟ್ರಿಕ್ ಪೂರ್ವ ಮತ್ತು ಮೆಟ್ರಿಕ್ ನಂತರದ ಆರ್ಥಿಕವಾಗಿ ಹಿಂದುಳಿದ ವರ್ಗಗಳ ವಿದ್ಯಾರ್ಥಿಗಳ ವಸತಿ ನಿಲಯಗಳು ಸ್ವಂತ ಕಟ್ಟಡಗಳಿಲ್ಲದೆ ಮೂಲ ಸೌಲಭ್ಯಗಳ ಕೊರತೆಯಿಂದ ಬಳಲುತ್ತಿರುವ ವಿಚಾರ ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಹಾಗಿದ್ದಲ್ಲಿ, ಆರ್ಥಿಕವಾಗಿ ಹಿಂದುಳಿದ ವರ್ಗಗಳ ವಿದ್ಯಾರ್ಥಿಗಳ ವಸತಿ ನಿಲಯಗಳಿಗೆ ಮೂಲ ಸೌಲಭ್ಯ ಹಾಗೂ ಸ್ವಂತ ಕಟ್ಟಡಗಳನ್ನು ನಿರ್ಮಿಸುವ ಸಂಬಂಧ ಸರ್ಕಾರ ತೆಗೆದುಕೊಂಡ ಕ್ರಮಗಳೇನು;

(ಇ) ಬೆಳಗಾವಿ ಜಿಲ್ಲೆಯಲ್ಲಿ ಇರುವ ಒಟ್ಟು ಮೆಟ್ರಿಕ್ ಪೂರ್ವ ಮತ್ತು ಮೆಟ್ರಿಕ್ ನಂತರದ ವಿವಿಧ ವಿದ್ಯಾರ್ಥಿ ವಸತಿ ನಿಲಯಗಳು ಎಷ್ಟು ; ಅವು ಯಾವುವು ;

(ಈ) ಪ್ರತಿ ವರ್ಷ ಎಷ್ಟು ವಿದ್ಯಾರ್ಥಿಗಳಿಗೆ ವಸತಿ ಸೌಲಭ್ಯ ಕಲ್ಪಿಸಲಾಗುವುದು ; (ವರ್ಗವಾರು ವಿವರ ನೀಡುವುದು)

(ಉ) ಸದರಿ ವಸತಿ ನಿಲಯಗಳಿಗೆ ಸ್ವಂತ ಕಟ್ಟಡ ಮತ್ತು ಅಗತ್ಯ ಮೂಲ ಸೌಲಭ್ಯಗಳನ್ನು ಯಾವ ಕಾಲಮಿತಿಯಲ್ಲಿ ಒದಗಿಸಲಾಗುವುದು? (ವಿವರ ನೀಡುವುದು)